

# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ಗುರುತಿನ ಪ್ರಶ್ನೆ**

ದಿನಾಂಕ : 04-03-2021 ಪ್ರಶ್ನೆ ಸಂಖ್ಯೆ : 92 (627)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಹೆಚ್. ಎಂ. ರಮೇಶ ಗೌಡ(ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 04-03-2021

ಉತ್ತರಿಸುವ ಸಚಿವರು: ಗೃಹ ಮತ್ತು ಕಾನೂನು, ಸಂಸದೀಯ ವ್ಯವಹಾರಗಳು ಹಾಗೂ ಶಾಸನ ರಚನೆ ಸಚಿವರು

ವಿಷಯ : ಬೆಂಗಳೂರು ನಗರದಲ್ಲಿ ಹೆಚ್ಚಾಗುತ್ತಿರುವ ಟ್ರಾಫಿಕ್ ಸಮಸ್ಯೆ ಕುರಿತು

(ಅ) ಬೆಂಗಳೂರು ನಗರದಲ್ಲಿ ದಿನೇ ದಿನೇ ಟ್ರಾಫಿಕ್ ತೊಂದರೆ ಹೆಚ್ಚಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ ಟ್ರಾಫಿಕ್ ನಿಯಂತ್ರಣಕ್ಕೆ ಸರ್ಕಾರ ಕೈಗೊಂಡ ಕ್ರಮಗಳೇನು;

(ಆ) ಸದ್ಯ ಟ್ರಾಫಿಕ್ ವಿಭಾಗದಲ್ಲಿ ಮೂರು ವಲಯಗಳು ಮಾತ್ರವಿದ್ದು, ಹೊಸದಾಗಿ ನಾಲ್ಕನೇ ವಲಯ (ದಕ್ಷಿಣ ವಲಯ) ಮಾಡಲು ಸರ್ಕಾರ ಚಿಂತನೆ ನಡೆಸಿದೆಯೇ;

(ಇ) ನಗರದ ಅನಿರೀಕ್ಷಿತ ತಿರುವುಗಳಲ್ಲಿ ಟ್ರಾಫಿಕ್ ಪೊಲೀಸ್‌ರು ಏಕಾಏಕಿ ಅಡ್ಡ ಬಂದು ವಾಹನ ಸವಾರರ ಅಪಘಾತಗಳಿಗೆ ಕಾರಣವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ ಸರ್ಕಾರ ಈ ಬಗ್ಗೆ ಕೈಗೊಂಡ ಕ್ರಮಗಳೇನು;

(ಈ) ಟ್ರಾಫಿಕ್ ವಿಭಾಗದ ಸಿಬ್ಬಂದಿಗಳ ಸಂಖ್ಯೆ ಕಡಿಮೆಯಿದ್ದು, ಸಿಬ್ಬಂದಿಗಳು ನಿಯೋಜನೆಗೆ ಯಾವ ಕ್ರಮ ಕೈಗೊಳ್ಳಲಾಗಿದೆ. ಹೊಸ ಸಿಬ್ಬಂದಿಗಳ ನೇಮಕಾತಿ ಪ್ರಕ್ರಿಯೆ ಯಾವಾಗ ಆರಂಭವಾಗಲಿದೆ?